ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 23ನೇ ಮಾರ್ಚ್, 2020

ವೈದ್ಯ ಸೀಟುಗಳನ್ನು ಬ್ಲಾಕ್ ಮಾಡಿ ಹೆಚ್ಚಿನ ಹಣಕ್ಕೆ ಮಾರುವ ಬಗ್ಗೆ

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

1493 (1777) ಮಾನ್ಯ ವೈದ್ಯಕೀಯ ಶಿಕ್ಷಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ರಾಜ್ಯದಲ್ಲಿನ ವೈದ್ಯಕೀಯ ಕಾಲೇಜುಗಳ ವೈದ್ಯ ಸೀಟುಗಳನ್ನು ಬ್ಲಾಕ್ ಮಾಡಿಸಿ ಹೆಚ್ಚಿನ ಹಣಕ್ಕೆ ಬೇರೆ ರಾಜ್ಯದ ವಿದ್ಯಾರ್ಥಿಗಳಿಗೆ ಮಾರಾಟ ಮಾಡುವ ದಂಧೆ ಇತ್ತೀಚೆಗೆ ವ್ಯಾಪಕವಾಗಿ ಹರಡುತ್ತಿರುವುದನ್ನು ದಿನಪತ್ರಿಕೆಗಳು ವರದಿ ಮಾಡಿರುವುದನ್ನು ಸರ್ಕಾರ ಗಮನಿಸಿದೆಯೇ; ಗಮನಿಸಿದ್ದಲ್ಲಿ, ಈ ಕುರಿತು ಸರ್ಕಾರದ ಪ್ರತಿಕ್ರಿಯೆ ಏನು ;

(ಆ) ಸದರಿ ದಂಧೆಯಲ್ಲಿ ಪರೋಕ್ಷವಾಗಿ ಕಾಲೇಜು ಆಡಳಿತ ಮಂಡಳಿಗಳೂ ಶಾಮೀಲಾಗಿರುವ ಬಗ್ಗೆ ದೂರುಗಳು ದಾಖಲಾಗಿವೆಯೇ ;

(ಇ) ದೂರು ದಾಖಲಾಗಿದ್ದಲ್ಲಿ, ಕಾಲೇಜುಗಳ ಹೆಸರು ತಿಳಿಸುವುದು; ಹಾಗೂ ಸದರಿ ಕಾಲೇಜುಗಳ ವಿರುದ್ಧ ಸರ್ಕಾರ ತೆಗೆದುಕೊಂಡ ಕ್ರಮಗಳೇನು ;

(ಈ) ಪ್ರತಿಭಾವಂತ ವಿದ್ಯಾರ್ಥಿಗಳು ಅವಕಾಶ ವಂಚಿತರಾಗುವ ಇಂತಹ ದಂಧೆಯನ್ನು ನಿಯಂತ್ರಿಸುವ ನಿಟ್ಟಿನಲ್ಲಿ ಸರ್ಕಾರ ಯಾವ ಯಾವ ಕ್ರಮಗಳನ್ನು ಕೈಗೊಂಡಿದೆ ?